# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಹದಿನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 20ನೇ ಜೂನ್, 2017
(ಸಮಯ: ಬೆಳಿಗ್ಗೆ 10.00 ಗಂಟೆಗೆ)

----

### 1. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

ಸದಸ್ಯರಿಗೆ ಪ್ರತ್ಯೇಕವಾಗಿ ಕಳುಹಿಸಲಾಗಿರುವ ಮೂರನೇ ಪಟ್ಟಿಯ ರೀತ್ಯ.

### 2. ವರದಿಗಳನ್ನೊಪ್ಪಿಸುವುದು

1. **ಶ್ರೀ ಎನ್.ಹೆಚ್. ಶಿವಶಂಕರ ರೆಡ್ಡಿ** (ಉಪ ಸಭಾಧ್ಯಕ್ಷರು ಹಾಗೂ ಅಧ್ಯಕ್ಷರು, ವಿಧಾನಸಭೆ ಅರ್ಜಿಗಳ ಸಮಿತಿ) ಅವರು ವಿಧಾನಸಭೆ ಅರ್ಜಿಗಳ ಸಮಿತಿಯ 24ನೇ ವರದಿಯನ್ನೊಪ್ಪಿಸುವುದು.

2. **ಶ್ರೀ ಬಿ.ಆರ್. ಯಾವಗಲ್** ( ಅಧ್ಯಕ್ಷರು, ವಿಧಾನ ಮಂಡಲದ ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಂಸ್ಥೆಗಳ ಸಮಿತಿ) ಅವರು 2016-17ನೇ ಸಾಲಿನ ವಿಧಾನ ಮಂಡಲದ ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಂಸ್ಥೆಗಳ ಸಮಿತಿಯ 23ನೇ ವರದಿಯನ್ನೊಪ್ಪಿಸುವುದು.

3. **ಶ್ರೀ ಜೆ.ಆರ್. ಲೋಬೋ** ( ಅಧ್ಯಕ್ಷರು, ವಿಧಾನ ಮಂಡಲದ ಹಿಂದುಳಿದ ವರ್ಗಗಳ ಮತ್ತು ಅಲ್ಪಸಂಖ್ಯಾತರ ಕಲ್ಯಾಣ ಸಮಿತಿ) ಅವರು 2016-17ನೇ ಸಾಲಿನ ವಿಧಾನ ಮಂಡಲದ ಹಿಂದುಳಿದ ವರ್ಗಗಳ ಮತ್ತು ಅಲ್ಪಸಂಖ್ಯಾತರ ಕಲ್ಯಾಣ ಸಮಿತಿಯ 8ನೇ ವರದಿಯನ್ನೊಪ್ಪಿಸುವುದು.

4. **ಶ್ರೀ ಕ್ಯಾತಸಂದ್ರ ಎನ್. ರಾಜಣ್ಣ** (ಅಧ್ಯಕ್ಷರು, ಸರ್ಕಾರಿ ಭರವಸೆಗಳ ಸಮಿತಿ) ಅವರು ಸರ್ಕಾರಿ ಭರವಸೆಗಳ ಸಮಿತಿಯ 2016-17ನೇ ಸಾಲಿನ ಎತ್ತಿನ ಹೊಳೆ ಯೋಜನೆಯ ಸ್ಥಳ ಪರಿವೀಕ್ಷಣೆಯ ವಿಶೇಷ ವರದಿಯನ್ನೊಪ್ಪಿಸುವುದು.

## 3. ಅರ್ಜಿಗಳನ್ನೊಪ್ಪಿಸುವುದು

**ಶ್ರೀ ಎನ್.ಹೆಚ್. ಶಿವಶಂಕರರೆಡ್ಡಿ** (ಮಾನ್ಯ ಉಪ ಸಭಾಧ್ಯಕ್ಷರು ಹಾಗೂ ಅಧ್ಯಕ್ಷರು, ಅರ್ಜಿಗಳ ಸಮಿತಿ) ಅವರು ಈ ಕೆಳಕಂಡ ಅರ್ಜಿಗಳನ್ನು ಒಪ್ಪಿಸುವುದು.

1. ಕರ್ನಾಟಕ ರಾಜ್ಯದ ತಾಲ್ಲೂಕು ಭೂಮಾಪನಾ ಶಾಖೆಯಲ್ಲಿ ಕಾರ್ಯನಿರ್ವಹಿಸುತ್ತಿರುವ ಸಕಾಲ ಮತ್ತು ಮೋಜಿಣಿ ಆಪರೇಟರ್‌ಗಳಿಗೆ ಸರ್ಕಾರ ಅಥವಾ ಭೂಮಾಪನಾ ಇಲಾಖೆಯಿಂದ ವೇತನ ವಿತರಿಸುವ ಬಗ್ಗೆ.

2. ತುಮಕೂರು ಜಿಲ್ಲೆ, ಕಸಬಾ ತಾಲ್ಲೂಕು, ಕೋರ ಹೋಬಳಿ ವ್ಯಾಪ್ತಿಗೆ ಬರುವ 7 ಗ್ರಾಮ ಪಂಚಾಯಿತಿಗಳ ವಸತಿ ರಹಿತರಿಗೆ ಮನೆಗಳನ್ನು ಮಂಜೂರು ಮಾಡುವಲ್ಲಿ ಆಗಿರುವ ಲೋಪದ ಬಗ್ಗೆ.

3. ತುಮಕೂರು ಜಿಲ್ಲೆ, ಕುಣಿಗಲ್ ತಾಲ್ಲೂಕಿನ, ಹುತ್ತರಿದುರ್ಗ ಹೋಬಳಿಯ ಪರಾತನ ಇಪ್ಪಾಡಿಯ ಮುದ್ದರಂಗನ ಕೆರೆಯನ್ನು ಪುನರ್ ನಿರ್ಮಾಣ ಮಾಡಲು ಸರ್ಕಾರ ಆಸಕ್ತಿ ವಹಿಸದಿರುವ ಬಗ್ಗೆ.

4. ಬೆಂಗಳೂರಿನ ಬಸವೇಶ್ವರನಗರದ ಕಿರ್ಲೋಸ್ಕರ್ ಕಾಲೋನಿ ವಸತಿ ಪ್ರದೇಶದಲ್ಲಿ ಸರ್ವೀಸ್ ಸ್ಟೇಷನ್ ನಡೆಸಿಕೊಂಡು ಸಾರ್ವಜನಿಕರಿಗೆ ತೊಂದರೆ ಕೊಡುತ್ತಿರುವ ಬಗ್ಗೆ.

5. ಗೌರಿಬಿದನೂರು ತಾಲ್ಲೂಕಿನ ಸೊನಗಾನಹಳ್ಳಿ ಸರ್ಕಾರಿ ಪ್ರೌಢಶಾಲೆ (ಆರ್.ಎಂ.ಎಸ್.ಎ.)ಯ ಹೊಸಕಟ್ಟಡವು ಕಳಪೆ ಕಾಮಗಾರಿಯಿಂದ ಉದ್ಘಾಟನೆಯಾದ ವರ್ಷದೊಳಗೆ ದುರಸ್ತಿಗೊಳಪಟ್ಟಿರುವ ಬಗ್ಗೆ.

6. ಬೆಂಗಳೂರಿನ ರಾಜರಾಜೇಶ್ವರಿ ನಗರದ ವಾರ್ಡ್ ನಂ. 160ರ ಹರಿದಾಸ ನಗರದಲ್ಲಿ ಶ್ರೀ ನರಸಿಂಹ ದೇವಸ್ಥಾನದ ಮುಂದೆ ಪ್ಲಾಸ್ಟಿಕ್ ಮತ್ತು ಕಸವನ್ನು ಸುಟ್ಟು ಪರಿಸರ ಮಾಲಿನ್ಯಗೊಳಿಸುತ್ತಿರುವುದರಿಂದ ಸಾರ್ವಜನಿಕರಿಗೆ ತೊಂದರೆಯಾಗುತ್ತಿರುವ ಬಗ್ಗೆ.

## 4. ವಿತ್ತೀಯ ಕಾರ್ಯಕಲಾಪಗಳು

2017–18ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಗಳ ಮೇಲೆ ನಡೆದ ಚರ್ಚೆಗೆ ಸರ್ಕಾರದ ಉತ್ತರ ಹಾಗೂ ಮತಕ್ಕೆ ಹಾಕುವುದು.

| ಬೇಡಿಕೆ ಸಂಖ್ಯೆ | ಬೇಡಿಕೆಯ ಹೆಸರು |
|---|---|
| 02 | ಪಶುಸಂಗೋಪನೆ ಮತ್ತು ಮೀನುಗಾರಿಕೆ |
| 03 | ಆರ್ಥಿಕ |
| 04 | ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ |
| 05 | ಒಳಾಡಳಿತ ಮತ್ತು ಸಾರಿಗೆ |
| 06 | ಮೂಲಭೂತ ಸೌಕರ್ಯ ಅಭಿವೃದ್ಧಿ |
| 07 | ಗ್ರಾಮೀಣ ಅಭಿವೃದ್ಧಿ ಮತ್ತು ಪಂಚಾಯತಿ ರಾಜ್ |
| 08 | ಅರಣ್ಯ, ಜೀವಿ ಶಾಸ್ತ್ರ ಮತ್ತು ಪರಿಸರ |
| 09 | ಸಹಕಾರ |
| 10 | ಸಮಾಜ ಕಲ್ಯಾಣ |
| 11 | ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ |
| 12 | ವಾರ್ತಾ, ಪ್ರವಾಸೋದ್ಯಮ ಮತ್ತು ಯುವಜನ ಸೇವೆಗಳು |
| 13 | ಆಹಾರ ಮತ್ತು ನಾಗರೀಕ ಸರಬರಾಜು |
| 15 | ಮಾಹಿತಿ ತಂತ್ರಜ್ಞಾನ |
| 16 | ವಸತಿ |
| 17 | ಶಿಕ್ಷಣ |
| 18 | ವಾಣಿಜ್ಯ ಮತ್ತು ಕೈಗಾರಿಕೆ |
| 19 | ನಗರಾಭಿವೃದ್ಧಿ |
| 20 | ಲೋಕೋಪಯೋಗಿ |
| 21 | ಜಲ ಸಂಪನ್ಮೂಲ |
| 22 | ಆರೋಗ್ಯ ಮತ್ತು ಕುಟುಂಬ ಕಲ್ಯಾಣ |
| 23 | ಕಾರ್ಮಿಕ ಮತ್ತು ಕೌಶಲ್ಯ ಅಭಿವೃದ್ಧಿ |

| | |
|---|---|
| 25 | ಕನ್ನಡ ಮತ್ತು ಸಂಸ್ಕೃತಿ |
| 26 | ಯೋಜನೆ, ಸಾಂಖ್ಯಿಕ, ವಿಜ್ಞಾನ ಮತ್ತು ತಂತ್ರಜ್ಞಾನ |
| 27 | ಕಾನೂನು |
| 28 | ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ |

## 5. ಶಾಸನ ರಚನೆ

### I. ವಿಧೇಯಕಗಳನ್ನು ಮಂಡಿಸುವುದು

**1. ಶ್ರೀ ಟಿ.ಬಿ. ಜಯಚಂದ್ರ (ಕಾನೂನು, ಸಂಸದೀಯ ವ್ಯವಹಾರಗಳು ಹಾಗೂ ಸಣ್ಣ ನೀರಾವರಿ ಸಚಿವರು) ಅವರು :-**

ಅ) 2017ನೇ ಸಾಲಿನ ಭಾರತ ರಾಷ್ಟ್ರೀಯ ಕಾನೂನು ವಿದ್ಯಾಲಯ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು.

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2. ಶ್ರೀ ಹೆಚ್.ಕೆ ಪಾಟೀಲ್ (ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ವಿಶ್ವವಿದ್ಯಾಲಯ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು.

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**3. ಶ್ರೀ ಹೆಚ್.ಕೆ ಪಾಟೀಲ್ (ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ಗ್ರಾಮ ಸ್ವರಾಜ್ ಮತ್ತು ಪಂಚಾಯತ್ ರಾಜ್ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು.

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## II. ವಿಧೇಯಕಗಳನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು

1. **ಶ್ರೀ ಕೆ.ಆರ್. ರಮೇಶ್ ಕುಮಾರ್ (ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳ (ವೈದ್ಯಾಧಿಕಾರಿಗಳು ಮತ್ತು ಇತರ ಸಿಬ್ಬಂದಿಯ ವರ್ಗಾವಣೆ ನಿಯಂತ್ರಣ) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

2. **ಶ್ರೀ ಕೆ.ಆರ್. ರಮೇಶ್ ಕುಮಾರ್ (ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ಖಾಸಗಿ ವೈದ್ಯಕೀಯ ಸಂಸ್ಥೆಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

3. **ಶ್ರೀ ಬಸವರಾಜ ರಾಯರಡ್ಡಿ (ಉನ್ನತ ಶಿಕ್ಷಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಡಾ॥ ಗಂಗೂಬಾಯಿ ಹಾನಗಲ್ ಸಂಗೀತ ಮತ್ತು ಪ್ರದರ್ಶಕ ಕಲೆಗಳ ವಿಶ್ವವಿದ್ಯಾಲಯ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು

4. **ಶ್ರೀ ಬಸವರಾಜ ರಾಯರಡ್ಡಿ (ಉನ್ನತ ಶಿಕ್ಷಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ವಿಶ್ವವಿದ್ಯಾನಿಲಯಗಳ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು

5. **ಶ್ರೀ ಬಸವರಾಜ ರಾಯರಡ್ಡಿ (ಉನ್ನತ ಶಿಕ್ಷಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಉನ್ನತ ಶಿಕ್ಷಣ ಪರಿಷತ್ತು (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು

. . . 6

**6. ಡಾ॥ ಶರಣಪ್ರಕಾಶ ಆರ್. ಪಾಟೀಲ್ (ವೈದ್ಯಕೀಯ ಶಿಕ್ಷಣ ಸಚಿವರು) ಅವರು :–**

ಅ) 2017ನೇ ಸಾಲಿನ ಕರ್ನಾಟಕ ವೈದ್ಯಕೀಯ ಕೋರ್ಸುಗಳನ್ನು ಪೂರ್ಣಗೊಳಿಸಿದ ಅಭ್ಯರ್ಥಿಗಳ ಕಡ್ಡಾಯ ಸೇವಾ ತರಬೇತಿ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**7. ಶ್ರೀ ಕೃಷ್ಣ ಬೈರೇಗೌಡ (ಕೃಷಿ ಸಚಿವರು) ಅವರು :–**

ಅ) 2016ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳ (ಕೃಷಿ ಇಲಾಖೆಯ ಅಧಿಕಾರಿಗಳು ಮತ್ತು ಇತರ ಸಿಬ್ಬಂದಿಯ ವರ್ಗಾವಣೆ ನಿಯಂತ್ರಣ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**8. ಶ್ರೀ ಹೆಚ್.ಆಂಜನೇಯ(ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು) ಅವರು :–**

ಅ) 2017ನೇ ಸಾಲಿನ ಕರ್ನಾಟಕ ಅನುಸೂಚಿತ ಜಾತಿಗಳ ಉಪಯೋಜನೆ ಮತ್ತು ಬುಡಕಟ್ಟು ಉಪಯೋಜನೆ (ಯೋಜನೆ ರೂಪಿಸುವುದು, ಆರ್ಥಿಕ ಸಂಪನ್ಮೂಲಗಳ ಹಂಚಿಕೆ ಮತ್ತು ಬಳಕೆ) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**9. ಶ್ರೀ ಕಾಗೋಡು ತಿಮ್ಮಪ್ಪ (ಕಂದಾಯ ಸಚಿವರು) ಅವರು :–**

ಅ) 2017ನೇ ಸಾಲಿನ ರೋರಿಕ್ ಮತ್ತು ದೇವಿಕಾರಾಣಿ ರೋರಿಕ್ ಎಸ್ಟೇಟ್ (ಆರ್ಜನೆ ಮತ್ತು ವರ್ಗಾವಣೆ) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**10. ಶ್ರೀ ಟಿ.ಬಿ. ಜಯಚಂದ್ರ (ಕಾನೂನು, ಸಂಸದೀಯ ವ್ಯವಹಾರಗಳು ಹಾಗೂ ಸಣ್ಣ ನೀರಾವರಿ ಸಚಿವರು) ಅವರು :–**

ಅ) 2017ನೇ ಸಾಲಿನ ಭಾರತ ರಾಷ್ಟ್ರೀಯ ಕಾನೂನು ವಿದ್ಯಾಲಯ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

. . . 7

**11. ಶ್ರೀ ಹೆಚ್.ಕೆ ಪಾಟೀಲ್ (ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ವಿಶ್ವವಿದ್ಯಾಲಯ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**12. ಶ್ರೀ ಹೆಚ್.ಕೆ ಪಾಟೀಲ್ (ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ಗ್ರಾಮ ಸ್ವರಾಜ್ ಮತ್ತು ಪಂಚಾಯತ್ ರಾಜ್ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಅ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**ಎಸ್. ಮೂರ್ತಿ**
ಕಾರ್ಯದರ್ಶಿ(I/c)

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm